


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 18-03-2021 ಪ್ರಶ್ನೆ ಸಂಖ್ಯೆ : 1329(1591)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಮರಿತಿಬ್ಬೇಗೌಡ(ಶಿಕ್ಷಕರ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 18-03-2021

ಉತ್ತರಿಸುವ ಸಚಿವರು: ಮಾನ್ಯ ಮುಖ್ಯಮಂತ್ರಿಗಳು

ವಿಷಯ : ರೈತರ ಕೃಷಿ ಪಂಟ್ ಸೆಟ್‌ಗಳಿಗೆ ನಿರಂತರ 7 ಗಂಟೆಗಳ ವಿದ್ಯುತ್ ಸರಬರಾಜು ಬಗ್ಗೆ

(ಅ) ರೈತರ ಕೃಷಿ ಪಂಪ್ ಸೆಟ್‌ಗಳಿಗೆ ಹಗಲಿನ ವೇಳೆಯಲ್ಲಿಯೇ ನಿರಂತರ 7 ಗಂಟೆಗಳ ವಿದ್ಯುತ್ ನೀಡುವಂತೆ ಸರ್ಕಾರದಿಂದ ಈಗಾಗಲೇ ಆದೇಶವಾಗಿದ್ದು, ಈ ಯೋಜನೆಯು ಮಂಡ್ಯ ಜಿಲ್ಲೆಯಲ್ಲಿ ಭಾಗಶಃ ಮಾತ್ರ ಅನುಷ್ಠಾನಗೊಂಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಹಾಗಿದ್ದಲ್ಲಿ, ಪರಿಪೂರ್ಣವಾಗಿ ಅನುಷ್ಠಾನಗೊಳಿಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು;

(ಇ) ಮಂಡ್ಯ ಹಾಗೂ ಮೈಸೂರು ಜಿಲ್ಲೆ ವ್ಯಾಪ್ತಿಯಲ್ಲಿ ಕೃಷಿ ಪಂಪ್ ಸೆಟ್‌ಗಳ ಪರಿವರ್ತಕಗಳು ಓವರ್ ಲೋಡ್ ಆಗಿ ಅಥವಾ ನಿರ್ವಹಣೆಯಿಲ್ಲದೆ ಪದೇ ಪದೇ ಸುಡುತ್ತಿದ್ದು, ಹೆಚ್ಚುವರಿ ಪರಿವರ್ತಕ ಅಳವಡಿಸಲು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು; ಇವುಗಳನ್ನು ಬದಲಾಯಿಸಲು ವಿಳಂಬವಾಗುತ್ತಿರುವುದಕ್ಕೆ ಕಾರಣಗಳೇನು;

(ಈ) ಮೈಸೂರು ಜಿಲ್ಲೆಯಲ್ಲಿ ಅನಧಿಕೃತ ನೀರಾವರಿ ಪಂಪ್ ಸೆಟ್‌ಗಳ ಸಕ್ರಮೀಕರಣಕ್ಕೆ ಬಂದಿರುವ ಅರ್ಜಿಗಳ ಸಂಖ್ಯೆ ಎಷ್ಟು; ಸದರಿ ನೀರಾವರಿ ಪಂಪ್ ಸೆಟ್‌ಗಳಿಗೆ ಮೂಲಭೂತ ಸೌಲಭ್ಯ ಕಲ್ಪಿಸಲು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು;

(ಉ) ಕೃಷಿ ಜಮೀನಿನಲ್ಲಿ ಮನೆ ಕಟ್ಟಿಕೊಂಡು ವಾಸ ಮಾಡುತ್ತಿರುವ ರೈತರ ಮನೆಗಳಿಗೆ ನಿರಂತರ ಜ್ಯೋತಿ ವಿದ್ಯುತ್ ನೀಡಲು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು;

(ಊ) ರಾಜ್ಯದಲ್ಲಿ ಬೇಡಿಕೆಗಿಂತ ಹೆಚ್ಚುವರಿ ವಿದ್ಯುತ್ ಲಭ್ಯವಾಗುತ್ತಿದೆಯೇ; ಹಾಗಿದ್ದಲ್ಲಿ, ರೈತರ ಕೃಷಿ ಪಂಪ್ ಸೆಟ್‌ಗಳಿಗೆ ಹೆಚ್ಚುವರಿಯಾಗಿ ವಿದ್ಯುತ್ ಸರಬರಾಜು ಮಾಡುವ ಯಾವುದಾದರೂ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ? (ವಿವರಗಳನ್ನು ಒದಗಿಸುವುದು)